# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 400 (216)
ಸದಸ್ಯರ ಹೆಸರು : ಶ್ರೀ ಎನ್.ರವಿಕುಮಾರ್
(ವಿಧಾನ ಸಭೆಯಿಂದ ಚುನಾಯಿತರಾದವರು)
ಉತ್ತರಿಸಬೇಕಾದ ದಿನಾಂಕ : 19.07.2019
ಉತ್ತರಿಸುವ ಸಚಿವರು : ಗೃಹ ಸಚಿವರು

| ಕ್ರ.ಸ | ಪ್ರಶ್ನೆ | ಉತ್ತರ |
|---|---|---|
| ಅ | ದಕ್ಷಿಣ ಕನ್ನಡ ಜಿಲ್ಲೆಯ ಸುರತ್ಕಲ್‌ಗೆ ಆಗಮಿಸುವ ಅಥವಾ ರೈಲು ನಿಲ್ದಾಣದಲ್ಲಿ ಪಾರ್ಕಿಂಗ್ ಸಮಸ್ಯೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಈ ಸಮಸ್ಯೆಯನ್ನು ಪರಿಹರಿಸಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ. | ಸುರತ್ಕಲ್ ರೈಲು ನಿಲ್ದಾಣದ ಪಾರ್ಕಿಂಗ್ ಸಮಸ್ಯೆ ಇರುವ ಬಗ್ಗೆ ಈವರೆಗೂ ಯಾವುದೇ ದೂರುಗಳು ಬಂದಿರುವುದಿಲ್ಲ ಹಾಗೂ ಸಂಚಾರ ಸುವ್ಯವಸ್ಥೆಯನ್ನು ಕಾಪಾಡುವ ಹಿತದೃಷ್ಟಿಯಿಂದ ಸಿಬ್ಬಂದಿಗಳನ್ನು ನಿಯೋಜಿಸಿ ಸೂಕ್ತ ಕ್ರಮ ಕೈಗೊಳ್ಳಲಾಗುತ್ತಿದೆ. |
| ಆ | ಈ ರೈಲು ನಿಲ್ದಾಣಕ್ಕೆ ಆಗಮಿಸುವ ಅಥವಾ ರೈಲು ನಿಲ್ದಾಣದಲ್ಲಿ ವಾಹನ ನಿಲುಗಡೆಗೊಳಿಸಿ ದೂರದ ಸ್ಥಳಗಳಿಗೆ ಪ್ರಯಾಣಿಸುವ ಪ್ರಯಾಣಿಕರು ರೈಲು ನಿಲ್ದಾಣದಿಂದ ನಗರ ಪಾಲಿಕೆ ನಿರ್ಮಿಸಿದ ರಸ್ತೆಗೆ ಅಡ್ಡಲಾಗಿ ವಾಹನಗಳನ್ನು ನಿಲ್ಲಿಸಿತ್ತಿರುವುದರಿಂದ ಕಾನೂನು ಸುವ್ಯವಸ್ಥೆಯ ಸಮಸ್ಯೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಈ ಸಮಸ್ಯೆಯನ್ನು ಪರಿಹರಿಸಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ. | ಸುರತ್ಕಲ್ ರೈಲು ನಿಲ್ದಾಣಕ್ಕೆ ಹೋಗುವ ರಸ್ತೆಯಲ್ಲಿ ಸುಗಮ ಸಂಚಾರಕ್ಕೆ ತೊಂದರೆಯಾಗದಂತೆ ಠಾಣೆಯಿಂದ ಸಿಬ್ಬಂದಿಗಳನ್ನು ನೇಮಿಸಿ ಸುಗಮ ಸಂಚಾರಕ್ಕೆ ಕ್ರಮ ಕೈಗೊಳ್ಳಲಾಗುತ್ತಿದೆ. ರಸ್ತೆಗೆ ಅಡ್ಡಲಾಗಿ ನಿಲ್ಲಿಸುವ ವಾಹನಗಳ ವಿರುದ್ಧ ಪ್ರಕರಣಗಳನ್ನು ದಾಖಲಿಸಿ, ಸೂಕ್ತ ಕ್ರಮ ಕೈಗೊಂಡು ತೆರವುಗೊಳಿಸಲಾಗುತ್ತಿದೆ.<br>ಸುರತ್ಕಲ್ ರೈಲು ನಿಲ್ದಾಣಕ್ಕೆ ಸಂಪರ್ಕಿಸುವ ರಸ್ತೆ ಬದಿಯಲ್ಲಿ ನಿಲ್ಲಿಸುವ ಘನ ವಾಹನ ಹಾಗೂ ಇತರೆ ವಾಹನಗಳಿಗೆ ಐಎಂವಿ ಕಾಯ್ದೆಯಡಿ ದಾಖಲಿಸಿದ ಪ್ರಕರಣಗಳ ವಿವರ ಕೆಳಕಂಡಂತಿದೆ. |

| ವರ್ಷ | ನೋ ಪಾರ್ಕಿಂಗ್ ಪ್ರದೇಶದಲ್ಲಿ ಘನ ವಾಹನಗಳಿಗೆ ಐಎಂವಿ ಕಾಯ್ದೆಯಡಿ ದಾಖಲಿಸಿದ ಪ್ರಕರಣಗಳ ಸಂಖ್ಯೆ | ವಿಧಿಸಲಾದ ದಂಡ | ಅಡ್ಡಾದಿಡ್ಡಿಯಾಗಿ ನಿಲ್ಲಿಸಿರುವ ರಿಕ್ಷಾ, ಟ್ಯಾಕ್ಸಿ, ದ್ವಿಚಕ್ರ ವಾಹನಗಳಿಗೆ ಐಎಂವಿ ಕಾಯ್ದೆಯಡಿ ದಾಖಲಿಸಿದ ಪ್ರಕರಣಗಳ ಸಂಖ್ಯೆ | ವಿಧಿಸಲಾದ ದಂಡ |
|---|---|---|---|---|
| 2017 | 122 | 12200 | 20 | 2000 |
| 2018 | 113 | 11300 | 111 | 11100 |
| 2019(16.07.2019 ರವರಗೆ) | 36 | 4600 | 63 | 6300 |

...2

| | | |
|---|---|---|
| ಇ | ಈ ರೈಲು ನಿಲ್ದಾಣದಲ್ಲಿ ರಿಕ್ಷಾ, ಟ್ಯಾಕ್ಸಿ ಮತ್ತು ದ್ವಿಚಕ್ರ ವಾಹನಗಳಿಗೆ ಪಾರ್ಕಿಂಗ್ ವ್ಯವಸ್ಥೆ ಕಲ್ಪಿಸುವ ಬಗ್ಗೆ ಮತ್ತು ರೈಲು ನಿಲ್ದಾಣವನ್ನು ಸಂಪರ್ಕಿಸುವ ರಸ್ತೆಯ ಇಕ್ಕೆಲಗಳಲ್ಲಿ ಸೇವೆ ಬಳಸುವ ಲಾರಿಗಳು ನಿಲ್ಲಿಸುತ್ತಿರುವುದರಿಂದ ರೈಲು ಪ್ರಯಾಣಿಕರಿಗೆ ಆಗುತ್ತಿರುವ ಸಮಸ್ಯೆಯನ್ನು ಪರಿಹರಿಸಲು ಕೈಗೊಂಡ ಕ್ರಮಗಳೇನು | ಸುರತ್ಕಲ್ ರೈಲು ನಿಲ್ದಾಣಕ್ಕೆ ಸಂಪರ್ಕಿಸುವ ರಸ್ತೆ ಬದಿಯಲ್ಲಿ ನಿಲ್ಲಿಸುವ ಘನ ವಾಹನಗಳ ಮೇಲೆ ಪ್ರಕರಣ ದಾಖಲಿಸಿ ಸೂಕ್ತ ಕ್ರಮ ಕೈಗೊಂಡು ತೆರವುಗೊಳಿಸಲಾಗುತ್ತಿದೆ. |

ಹೆಚ್‌ಡಿ 220 ಎಸ್‌ಎಸ್‌ಟಿ 2019

(ಎಂ.ಬಿ.ಪಾಟೀಲ)
ಗೃಹ ಸಚಿವರು